


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 24-03-2021 ಪ್ರಶ್ನೆ ಸಂಖ್ಯೆ : 1732 (1997)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಂ. ನಾರಾಯಣಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 24-03-2021

ಉತ್ತರಿಸುವ ಸಚಿವರು: ಮಾನ್ಯ ಮುಜರಾಯಿ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು

ವಿಷಯ : ಮುಜರಾಯಿ ಇಲಾಖೆಯ ವ್ಯಾಪ್ತಿಗೊಳಪಡುವ ದೇವಸ್ಥಾನಗಳಬಗ್ಗೆ

ಅ) ರಾಜ್ಯದಲ್ಲಿ ಮುಜರಾಯಿ ಇಲಾಖೆಯಡಿಯಲ್ಲಿರುವ ಒಟ್ಟು ದೇವಸ್ಥಾನಗಳ ಸಂಖ್ಯೆ ಎಷ್ಟು ; ಅವು ಯಾವುವು ; (ಜಿಲ್ಲಾವಾರು ಮಾಹಿತಿಯನ್ನು ನೀಡುವುದು)

(ಆ) ಕಳೆದ ಮೂರು ವರ್ಷಗಳಲ್ಲಿ ಈ ದೇವಸ್ಥಾನಗಳ ವಿವಿಧ ಮೂಲಗಳಿಂದ ಸಂಗ್ರಹಿಸಿದ ಮೊತ್ತವೆಷ್ಟು ; (ಜಿಲ್ಲಾವಾರು ವಿವರ ನೀಡುವುದು)

(ಇ) ಈ ದೇವಸ್ಥಾನಗಳಿಂದ ಸಂಗ್ರಹಿಸಿದ ಹಣವನ್ನು ಸರ್ಕಾರ ಬೇರೆ ಯೋಜನೆಗಳಿಗೆ ಬಳಸಿಕೊಳ್ಳುತ್ತಿದೆಯೇ ; ಹಾಗಿದ್ದಲ್ಲಿ, ಯಾವ ಯಾವ ಯೋಜನೆಗಳಿಗೆ ಉಪಯೋಗಿಸಿಕೊಳ್ಳುತ್ತಿದೆ ;

(ಈ) ಈ ದೇವಸ್ಥಾನಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಸಿಬ್ಬಂದಿಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು ಮಾಹಿತಿಯನ್ನು ನೀಡುವುದು)

(ಉ) ಮುಜರಾಯಿ ಇಲಾಖೆ ಅಡಿಯಲ್ಲಿ ಬರುವ ಪುರಾತನ ದೇವಸ್ಥಾನಗಳನ್ನು ಅಭಿವೃದ್ಧಿಪಡಿಸಲು ಸರ್ಕಾರ ಯಾವ ಯೋಜನೆಗಳನ್ನು ರೂಪಿಸಿದೆ ;

(ಊ) ರಾಜ್ಯದಲ್ಲಿ ಮುಜರಾಯಿ ಇಲಾಖೆ ಅಡಿಯಲ್ಲಿ ಬರುವ ಒಟ್ಟು ದೇವಸ್ಥಾನಗಳ ಪೈಕಿ ಇದುವರೆಗೂ ಎಷ್ಟು ದೇವಸ್ಥಾನಗಳನ್ನು ಅಭಿವೃದ್ಧಿಪಡಿಸಿದೆ ? (ಜಿಲ್ಲಾವಾರು ಮಾಹಿತಿ ನೀಡುವುದು)